ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆ



ಕರ್ನಾಟಕ ವಿಧಾನ ಪರಿಷತ್ತು

ನೂರ ನಲವತ್ತೊಂದನೆಯ ಅಧಿವೇಶನ

ಸೋಮವಾರ, ದಿನಾಂಕ : 28 ನೇ ಸೆಪ್ಟೆಂಬರ್, 2020

ವಿಶ್ವವಿದ್ಯಾಲಯಗಳಲ್ಲಿ ಸಿಂಡಿಕೇಟ್ ಸದಸ್ಯರ ನಾಮನಿರ್ದೇಶನ ಕುರಿತು

ಶ್ರೀ ಅರುಣ ಶಹಾಪುರ (ಶಿಕ್ಷಕರ ಕ್ಷೇತ್ರ):-

745 (966) ಮಾನ್ಯ ಉಪ ಮುಖ್ಯಮಂತ್ರಿಗಳು ಹಾಗೂ ಉನ್ನತ ಶಿಕ್ಷಣ, ಮಾಹಿತಿ ತಂತ್ರಜ್ಞಾನ, ಜೈವಿಕ ತಂತ್ರಜ್ಞಾನ ಹಾಗೂ ವಿಜ್ಞಾನ ಮತ್ತು ತಂತ್ರಜ್ಞಾನ, ಕೌಶಲ್ಯಾಭಿವೃದ್ಧಿ, ಉದ್ಯಮಶೀಲತೆ ಮತ್ತು ಜೀವನೋಪಾಯ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ:-

(ಅ) ರಾಜ್ಯದಲ್ಲಿರುವ ಒಟ್ಟು ವಿಶ್ವ ವಿದ್ಯಾಲಯಗಳ ಸಂಖ್ಯೆ ಎಷ್ಟು ;

(ಆ) ಎಲ್ಲ ವಿಶ್ವ ವಿದ್ಯಾಲಯಗಳಲ್ಲಿ ಸಿಂಡಿಕೇಟ್ ಹಾಗೂ ಅಕಾಡೆಮಿಕ್ ಕೌನ್ಸಿಲ್ ಸದಸ್ಯರ ನಾಮನಿರ್ದೇಶನ ಆಗಿದೆಯೇ ; ಸಿಂಡಿಕೇಟ್ ಹಾಗೂ ಅಕಾಡೆಮಿಕ್ ಕೌನ್ಸಿಲ್ ಸದಸ್ಯರ ವಿಳಾಸ ದೂರವಾಣಿ ಸಂಖ್ಯೆಯ ವಿವರಗಳನ್ನು ಒದಗಿಸುವುದು ;

(ಇ) ನಾಮ ನಿರ್ದೇಶನ ಮಾಡಲು ಬಾಕಿ ಇರುವ ವಿಶ್ವ ವಿದ್ಯಾಲಯಗಳು ಯಾವುವು ?